## ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1889
ಸದಸ್ಯರ ಹೆಸರು : ಶ್ರೀ ಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ)
ಉತ್ತರಿಸುವ ದಿನಾಂಕ : 15-03-2022
ಉತ್ತರಿಸುವ ಸಚಿವರು : ಮಾನ್ಯ ಗಣಿ ಮತ್ತು ಭೂ ವಿಜ್ಞಾನ, ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಇಲಾಖಾ ಸಚಿವರು.

| ಕ್ರ ಸಂ | ಪ್ರಶ್ನೆ | ಉತ್ತರ |
|---|---|---|
| ಅ. | ರಾಜ್ಯದಲ್ಲಿ ಕಾರ್ಯನಿರ್ವಹಿಸುತ್ತಿರುವ ಅಂಗನವಾಡಿ ಕಾರ್ಯಕರ್ತೆಯರು ಹಾಗೂ ಸಹಾಯಕರುಗಳೆಷ್ಟು; | ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಇಲಾಖೆಯಡಿ 64582 ಅಂಗನವಾಡಿ ಕಾರ್ಯಕರ್ತೆಯರು ಹಾಗೂ 59136 ಅಂಗನವಾಡಿ ಸಹಾಯಕಿಯರು ಕಾರ್ಯನಿರ್ವಹಿಸುತ್ತಿದ್ದಾರೆ. |
| ಆ. | ಇವರಿಗೆ ನೀಡುತ್ತಿರುವ ವೇತನ ಎಷ್ಟು; | ಪ್ರಸ್ತುತ ಅಂಗನವಾಡಿ ಕಾರ್ಯಕರ್ತೆ ಮತ್ತು ಅಂಗನವಾಡಿ ಸಹಾಯಕಿಯರಿಗೆ ಈ ಕೆಳಕಂಡಂತೆ ಮಾಸಿಕ ಗೌರವಧನವನ್ನು ಪಾವತಿಸಲಾಗುತ್ತಿದೆ:- (see table below) |
| ಇ. | ಸರ್ಕಾರ ಹಲವಾರು ಕಾರ್ಯಗಳನ್ನು ನಿರ್ವಹಿಸುತ್ತಿರುವವರಿಗೆ ಕನಿಷ್ಠ ವೇತನವನ್ನು ನೀಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಸಮಗ್ರ ಮಕ್ಕಳ ಅಭಿವೃದ್ಧಿ ಯೋಜನೆಯು ಕೇಂದ್ರ ಪುರಸ್ಕೃತ ಯೋಜನೆಯಾಗಿದ್ದು, ಸದರಿ ಯೋಜನೆಯಡಿ ಅಂಗನವಾಡಿ ಕಾರ್ಯಕರ್ತೆ ಮತ್ತು ಸಹಾಯಕಿಯರನ್ನು ಗೌರವಧನ ಆಧಾರದ ಮೇರೆಗೆ ನೇಮಕ ಮಾಡಿಕೊಂಡಿರುವುದರಿಂದ, ಇವರುಗಳಿಗೆ ಕನಿಷ್ಠ ವೇತನ ಅನ್ವಯವಾಗುವುದಿಲ್ಲ. |

(ರೂ.ಗಳಲ್ಲಿ)

| ವಿವರ | ಕೇಂದ್ರ ಸರ್ಕಾರದ ಗೌರವ ಧನ | ಕೇಂದ್ರ ಸರ್ಕಾರದ ಪಾಲು | ರಾಜ್ಯ ಸರ್ಕಾರದ ಪಾಲು | ರಾಜ್ಯ ಸರ್ಕಾರದಿಂದ ನೀಡುತ್ತಿರುವ ಹೆಚ್ಚುವರಿ ಗೌರವಧನ | ಒಟ್ಟು |
|---|---|---|---|---|---|
| ಅಂಗನವಾಡಿ ಕಾರ್ಯಕರ್ತೆ | 4500 | 2700 | 1800 | 5500 | 10000 |
| ಅಂಗನವಾಡಿ ಸಹಾಯಕಿ | 2500 | 1500 | 1000 | 2750 | 5250 |
| ಮಿನಿ ಅಂಗನವಾಡಿ ಕಾರ್ಯಕರ್ತೆ | 3500 | 2100 | 1400 | 2750 | 6250 |

| | | |
|---|---|---|
| ಈ. | ಸೇವಾಹಿರಿತನ ಆಧಾರದ ಮೇಲೆ ಇವರ ವೇತನವನ್ನು ಹೆಚ್ಚಿಸಿ ಇವರಿಗೆ ನಿವೃತ್ತಿ, ಪಿಂಚಣಿ ಸೌಲಭ್ಯವನ್ನು ನೀಡಲು ಸರ್ಕಾರ ಕೈಗೊಂಡ ಕ್ರಮಗಳೇನು? (ತಿಳಿಸಿ) | 2022-23ನೇ ಸಾಲಿನ ಆಯವ್ಯಯ ಭಾಷಣದಲ್ಲಿ ಅಂಗನವಾಡಿ ಕಾರ್ಯಕರ್ತೆಯರಿಗೆ ನೀಡುತ್ತಿರುವ ಮಾಹೆಯಾನ ಗೌರವಧನವನ್ನು ಸೇವೆಯ ಆಧಾರದ ಮೇರೆಗೆ 20 ವರ್ಷಕ್ಕಿಂತ ಹೆಚ್ಚು ಸೇವೆ ಸಲ್ಲಿಸಿದವರಿಗೆ 1,500 ರೂ., 10-20 ವರ್ಷ ಸೇವೆ ಸಲ್ಲಿಸಿದವರಿಗೆ 1,250 ರೂ. ಮತ್ತು 10ಕ್ಕಿಂತ ಕಡಿಮೆ ವರ್ಷ ಸೇವೆ ಸಲ್ಲಿಸಿದವರಿಗೆ 1,000 ರೂ.ಗಳನ್ನು ಹೆಚ್ಚಿಸಲು ಪ್ರಸ್ತಾಪಿಸಲಾಗಿದೆ ಮತ್ತು ಎನ್.ಪಿ.ಎಸ್. ಲೈಟ್ ಯೋಜನೆಯಿಂದ ವಂಚಿತರಾದ ಅಂಗನವಾಡಿ ಕಾರ್ಯಕರ್ತೆಯರಿಗೆ ರೂ. 50,000 ಮತ್ತು ಅಂಗನವಾಡಿ ಸಹಾಯಕಿಯರಿಗೆ ರೂ. 30,000 ಇಡಿಗಂಟು ಪಾವತಿಸಲು ಸಹ ಪ್ರಸ್ತಾಪಿಸಲಾಗಿದೆ. |

ಸಂ: ಮಮಇ 111 ಐಸಿಡಿ 2022

Halappa BA

(ಆಚಾರ ಹಾಲಪ್ಪ ಬಸಪ್ಪ)
ಗಣಿ ಮತ್ತು ಭೂ ವಿಜ್ಞಾನ, ಮಹಿಳಾ ಮತ್ತು
ಮಕ್ಕಳ ಅಭಿವೃದ್ಧಿ ವಿಕಲಚೇತನರ ಹಾಗೂ
ಹಿರಿಯ ನಾಗರಿಕರ ಸಬಲೀಕರಣ ಸಚಿವರು.